

# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 675 |
| ಸದಸ್ಯರ ಹೆಸರು | : | ಶ್ರೀ ಶಶಿಲ್ ಜಿ ನಮೋಶಿ |
| ಉತ್ತರಿಸಬೇಕಾದ ದಿನಾಂಕ | : | 17-12-2021 |
| ಉತ್ತರಿಸುವ ಸಚಿವರು | : | ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಇರುವ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳ ಶೈಕ್ಷಣಿಕ ಚಟುವಟಿಕೆಗಳನ್ನು ಪರಿಶೀಲಿಸಲು ಲಭ್ಯವಿರುವ ವ್ಯವಸ್ಥೆ ಏನು; ಸಾರ್ವಜನಿಕ ಶಿಕ್ಷಣ ಇಲಾಖೆ ಮೂಲಕ ನಡೆಸಲಾಗುವ ಶೈಕ್ಷಣಿಕ ಚಟುವಟಿಕೆಗಳಿಂದ ಸದರಿ ವಸತಿ ಶಾಲೆಗಳ ಮಕ್ಕಳು ವಂಚಿತವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; | ರಾಜ್ಯದಲ್ಲಿರುವ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳ ಶೈಕ್ಷಣಿಕ ಚಟುವಟಿಕೆಗಳನ್ನು ಪರಿಶೀಲಿಸಲು ಕೆಳಕಂಡ ಕ್ರಮಗಳನ್ನು ಅನುಸರಿಸಲಾಗುತ್ತಿದೆ.<br>1. ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ಅಧೀನದ ವಸತಿ ಶಾಲೆ/ಕಾಲೇಜುಗಳ ಶೈಕ್ಷಣಿಕ ಚಟುವಟಿಕೆಗಳ ಮೇಲ್ವಿಚಾರಣೆ ಹಾಗೂ ಪರಿಶೀಲನೆಗಾಗಿ ಸಂಘದ ಕೇಂದ್ರ ಕಛೇರಿಯಲ್ಲಿ ಜಂಟಿ ನಿರ್ದೇಶಕರು(ಶಿಕ್ಷಣ), ಉಪ ನಿರ್ದೇಶಕರು (ಶಿಕ್ಷಣ), ಸಹಾಯಕ ನಿರ್ದೇಶಕರು (ಶಿಕ್ಷಣ), ಯೋಜನಾಧಿಕಾರಿಗಳು (ಶಿಕ್ಷಣ) ಇವರುಗಳನ್ನೊಳಗೊಂಡಂತೆ ಪ್ರತ್ಯೇಕ ಶಿಕ್ಷಣ ಮತ್ತು ತರಬೇತಿ ವಿಭಾಗವಿದೆ.<br>2. ಶೈಕ್ಷಣಿಕ ವಿಭಾಗಕ್ಕೆ ಸಲಹೆ ಸೂಚನೆಗಳನ್ನು ನೀಡಲು ಖ್ಯಾತ ಶೈಕ್ಷಣಿಕ ತಜ್ಞರಾದ ಡಾ॥ ಗುರುರಾಜ ಕರಜಗಿ ರವರನ್ನು ಶೈಕ್ಷಣಿಕ ಸಲಹೆಗಾರರನ್ನಾಗಿ, ಸಾರ್ವಜನಿಕ ಶಿಕ್ಷಣ ಇಲಾಖೆ ನಿವೃತ್ತ ನಿರ್ದೇಶಕರನ್ನು ಸಮಾಲೋಚಕರನ್ನಾಗಿ ನೇಮಿಸಿಕೊಳ್ಳಲಾಗಿದೆ.<br>3. ವಸತಿ ಶಾಲೆ/ಕಾಲೇಜುಗಳಲ್ಲಿ ವ್ಯಾಸಂಗ ಮಾಡುವ ವಿದ್ಯಾರ್ಥಿಗಳ ಶೈಕ್ಷಣಿಕ ಗುಣಮಟ್ಟವನ್ನು ಹೆಚ್ಚಿಸಲು ಮತ್ತು ಉತ್ತಮ ಗುಣಮಟ್ಟದ ಶಿಕ್ಷಣವನ್ನು ಒದಗಿಸುತ್ತಿರುವ ಬಗ್ಗೆ ಪರಿಶೀಲಿಸಲು ಸಮಾಜ ಕಲ್ಯಾಣ, ಹಿಂದುಳಿದ ವರ್ಗಗಳ ಕಲ್ಯಾಣ ಮತ್ತು ಪರಿಶಿಷ್ಟ ವರ್ಗಗಳ ಕಲ್ಯಾಣ ಇಲಾಖೆಯ ಜಿಲ್ಲಾ ಮಟ್ಟದ ಮತ್ತು ತಾಲ್ಲೂಕು ಮಟ್ಟದ ಅಧಿಕಾರಿಗಳಿಗೆ ವಹಿಸಲಾಗಿದೆ.<br>4. ವಸತಿ ಶಾಲಾ/ಕಾಲೇಜುಗಳ ಶೈಕ್ಷಣಿಕ ಕಾರ್ಯಕ್ರಮಗಳ ಸಮನ್ವಯಕ್ಕಾಗಿ ಜಿಲ್ಲೆಗೆ ಒಬ್ಬರಂತೆ ಸಂಘದ ಪ್ರಾಂಶುಪಾಲರನ್ನು ಜಿಲ್ಲಾ ಸಮನ್ವಯಾಧಿಕಾರಿಯನ್ನಾಗಿ ನೇಮಿಸಲಾಗಿದೆ.<br>5. ನವೋದಯ ವಿದ್ಯಾಲಯ ನಿರ್ವಹಣಾ ಸಮಿತಿಯ ಮಾದರಿಯಲ್ಲಿಯೇ, ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದಡಿಯಲ್ಲಿ ಕಾರ್ಯನಿರ್ವಹಿಸುತ್ತಿರುವ ವಸತಿ ಶಾಲೆಗಳಿಗೆ ವಸತಿ ಶಾಲಾ/ಕಾಲೇಜುಗಳಿಗೆ ಉತ್ಕೃಷ್ಟ ಗುಣಮಟ್ಟದ ಶೈಕ್ಷಣಿಕ ಸೌಲಭ್ಯ ಒದಗಿಸಲು ಮತ್ತು ಪರಿಣಾಮಕಾರಿಯಾಗಿ ಮೇಲ್ವಿಚಾರಣೆ/ ನಿರ್ವಹಣೆ ಮಾಡಲು ಜಿಲ್ಲಾಧಿಕಾರಿಗಳ ನೇತೃತ್ವದಲ್ಲಿ ಜಿಲ್ಲಾ ವಸತಿ ಶಾಲಾ ನಿರ್ವಹಣಾ ಸಮಿತಿಯನ್ನು ರಚಿಸಲಾಗಿದೆ.<br>6. ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವ್ಯಾಪ್ತಿಯ ಶಾಲಾ |

| | | |
|---|---|---|
| | | ಕಾಲೇಜುಗಳಲ್ಲಿ ರಾಜ್ಯ ಪಠ್ಯಕ್ರಮವನ್ನು ಅಳವಡಿಸಿಕೊಳ್ಳಲಾಗಿದೆ. ಈ ಸಂಬಂಧ ಶಿಕ್ಷಣ ಇಲಾಖೆಯು ಕಾಲಕಾಲಕ್ಕೆ ನೀಡುವ ಶೈಕ್ಷಣಿಕ ಚಟುವಟಿಕೆಗಳನ್ನು ಯಥಾವತ್ತಾಗಿ ಎಲ್ಲಾ ವಸತಿ ಶಾಲಾ ಕಾಲೇಜುಗಳಲ್ಲಿ ಅನುಷ್ಠಾನಗೊಳಿಸಲಾಗುತ್ತಿದೆ.<br><br>ಆದ್ದರಿಂದ ಮಕ್ಕಳು ಶೈಕ್ಷಣಿಕ ಚಟುವಟಿಕೆಗಳಿಂದ ವಂಚಿತರಾಗುತ್ತಿರುವ ಪ್ರಶ್ನೆ ಉದ್ಭವಿಸುವುದಿಲ್ಲ. |
| ಆ) | ಶಾಲೆಗಳಲ್ಲಿ ಶೈಕ್ಷಣಿಕ ಚಟುವಟಿಕೆ ನಿರ್ವಹಿಸದಿರುವುದರಿಂದ ಅಲ್ಲಿ ಓದುವ ಮಕ್ಕಳಿಗೆ ಗುಣಮಟ್ಟದ ಶಿಕ್ಷಣ ದೊರಕುವ ಸಾಧ್ಯತೆ ಇದೆಯೇ; | ಸಂಘದ ವಸತಿ ಶಾಲೆ, ಕಾಲೇಜುಗಳ ಮಕ್ಕಳಿಗೆ ಗುಣಮಟ್ಟದ ಶಿಕ್ಷಣ ನೀಡಲು ಕೆಳಕಂಡ ಕ್ರಮಗಳನ್ನು ಕೈಗೊಳ್ಳಲಾಗುತ್ತಿದೆ.<br>1. ಸಂಘದ ವಸತಿ ಶಾಲಾ/ಕಾಲೇಜುಗಳಿಗೆ ವಿದ್ಯಾರ್ಥಿಗಳ ಶೈಕ್ಷಣಿಕ ಹಿತದೃಷ್ಟಿಯಿಂದ ಖಾಯಂ ಅರ್ಹ ಶಿಕ್ಷಕರುಗಳನ್ನು ಕರ್ನಾಟಕ ಲೋಕಸೇವಾ ಆಯೋಗದ ಮೂಲಕ ನೇಮಕ ಮಾಡಿಕೊಳ್ಳಲಾಗಿದೆ.<br>2. ವಸತಿ ಶಾಲೆ, ಕಾಲೇಜುಗಳಲ್ಲಿನ ಶಿಕ್ಷಕರ ವೃತ್ತಿಪರ ಅಭಿವೃದ್ಧಿ, ವಿದ್ಯಾರ್ಥಿಗಳ ಕಲಿಕಾ ಮಟ್ಟ, ವಸತಿ ಶಾಲೆಗಳ ಗುಣಮಟ್ಟದ ಶಿಕ್ಷಣಕ್ಕೆ ವಿವಿಧ ಕ್ರಮಗಳನ್ನು ಕೈಗೊಳ್ಳುವ ದಿಸೆಯಲ್ಲಿ ಶಿಕ್ಷಣ ತಜ್ಞರನ್ನು ನೇಮಕ ಮಾಡಿಕೊಳ್ಳಲಾಗಿದೆ.<br>3. ಶಿಕ್ಷಕರ ವೃತ್ತಿಪರ ಸಾಮರ್ಥ್ಯ ಅಭಿವೃದ್ಧಿಗಾಗಿ IISc, RIE, ಜಿಲ್ಲಾ ಶಿಕ್ಷಣ ಮತ್ತು ತರಬೇತಿ ಸಂಸ್ಥೆಗಳ ಮೂಲಕ ಕಾಲಕಾಲಕ್ಕೆ ಶಿಕ್ಷಕರ ತರಬೇತಿಯನ್ನು ನೀಡಲಾಗುತ್ತಿದೆ.<br>4. ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವ್ಯಾಪ್ತಿಯ ಪ್ರತಿಭಾವಂತ ಸಂಪನ್ಮೂಲ ಶಿಕ್ಷಕರ ವಿಷಯವಾರು ತಂಡದ ಮೂಲಕ ಶಿಕ್ಷಕರುಗಳಿಗೆ ಅಲ್ಪಾವಧಿ ತರಬೇತಿ ಹಾಗೂ ಕಾರ್ಯಗಾರಗಳನ್ನು ನಿರಂತರವಾಗಿ ನಿರ್ವಹಿಸಲಾಗುತ್ತಿದೆ.<br>5. ವಿದ್ಯಾರ್ಥಿಗಳ ಶೈಕ್ಷಣಿಕ ಪ್ರಗತಿಗಾಗಿ ಪಠ್ಯಪುಸ್ತಕಗಳು, ನೋಟ್ ಪುಸ್ತಕಗಳು, ಲೇಖನ ಸಾಮಗ್ರಿ, ಶೈಕ್ಷಣಿಕ ಸಂಪನ್ಮೂಲಗಳನ್ನು ಒದಗಿಸಲಾಗುತ್ತಿದೆ.<br>6. ಮಕ್ಕಳ ಶೈಕ್ಷಣಿಕ, ಭೌಧಿಕ ಹಾಗೂ ಮಾನಸಿಕ ಅಭಿವೃದ್ಧಿಗಾಗಿ ಶಿಕ್ಷಕರಿಗೆ ಮತ್ತು ವಿದ್ಯಾರ್ಥಿಗಳಿಗೆ ನಿರಂತರ ತರಬೇತಿ ನೀಡಲು, ಶೈಕ್ಷಣಿಕ ಸಂಪನ್ಮೂಲ ಸೃಜಿಸಲು ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ಕೇಂದ್ರ ಕಛೇರಿಯಲ್ಲಿ ಮಾಸ್ಟರ್ ಸ್ಟುಡಿಯೋವನ್ನು ಸ್ಥಾಪಿಸಲಾಗಿದೆ. ಅಲ್ಲದೇ ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘವು ತನ್ನದೇ ಆದ "KREIS ACADEMIC MOUTH" ಯುಟ್ಯೂಬ್ ಚಾನಲ್ ಅನ್ನು ಹೊಂದಿದೆ.<br>7. ಕರ್ನಾಟಕ ವಸತಿ ಶಿಕ್ಷಣ ಸಂಘದ ಅಧೀನದಲ್ಲಿ ಕಾರ್ಯನಿರ್ವಹಿಸುತ್ತಿರುವ ವಸತಿ ಕಾಲೇಜುಗಳಲ್ಲಿ ಪ್ರಥಮ ಮತ್ತು ದ್ವಿತೀಯ ಪಿಯುಸಿ ವಿದ್ಯಾರ್ಥಿಗಳಿಗೆ CET/JEE/NEET ಸ್ಪರ್ಧಾತ್ಮಕ ಪರೀಕ್ಷೆಗಳಿಗೆ ಸಿದ್ಧಗೊಳಿಸಲು ಪರಿಣಿತ ಸಂಸ್ಥೆಗಳು, ನುರಿತ ಸಂಪನ್ಮೂಲ ವ್ಯಕ್ತಿಗಳಿಂದ ತರಬೇತಿಯನ್ನು ನೀಡಲಾಗುತ್ತಿದೆ.<br>8. ಕರ್ನಾಟಕ ವಸತಿ ಶಿಕ್ಷಣ ಸಂಘದ ಅಧೀನದಲ್ಲಿ ಕಾರ್ಯನಿರ್ವಹಿಸುತ್ತಿರುವ ವಸತಿ ಶಾಲೆಗಳಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳು ಹೆಚ್ಚಿನ ಸಂಖ್ಯೆಯಲ್ಲಿ ರಾಷ್ಟ್ರೀಯ ಪ್ರತಿಭಾನ್ವೇಷಣಾ ಪರೀಕ್ಷೆಗೆ (ಎನ್.ಟಿ.ಎಸ್.ಸಿ) |

| | | |
|---|---|---|
| | | ಹಾಜರಾಗಲು ಕ್ರಮವಹಿಸಲಾಗುತ್ತಿದೆ. ಪರಿಣಿತ ಸಂಸ್ಥೆ ಹಾಗೂ ಸಂಘದ ವತಿಯಿಂದ ನುರಿತ ಸಂಪನ್ಮೂಲ ವ್ಯಕ್ತಿಗಳಿಂದ ಆನ್‌ಲೈನ್ ಮೂಲಕ ತರಬೇತಿಯನ್ನು ನೀಡಲಾಗುತ್ತಿದೆ.<br>೯. ಸಂಘದ ಅಧೀನದಲ್ಲಿ ವಸತಿ ಶಾಲೆ/ ಕಾಲೇಜುಗಳಲ್ಲಿ ವಿದ್ಯಾರ್ಥಿ ಮತ್ತು ಶಿಕ್ಷಕರಿಗೆ ತಂತ್ರಜ್ಞಾನ ಆಧಾರಿತ, ಶೈಕ್ಷಣಿಕ ಗುಣಮಟ್ಟ ಹೆಚ್ಚಿಸುವ ಮತ್ತು ವೃತ್ತಿಪರ ಕೌಶಲ್ಯಗಳನ್ನು ಉತ್ತೇಜನ ನೀಡುವುದರ ಜೊತೆಗೆ ಅವರ ಸರ್ವತೋಮುಖ ಬೆಳವಣಿಗೆಗೆ ಪೂರಕ ಆಗುವಂತಹ ತರಬೇತಿಯನ್ನು IBM Stem for girls, Bangalore, Asha the Hope counselling & therapy centre, Dream A Dream, ಅಜೀಂ ಪ್ರೇಮ್‌ಜಿ ಫೌಂಡೇಷನ್, ಬ್ರಿಟೀಷ್ ಕೌನ್ಸಿಲ್ ಇತ್ಯಾದಿ ರವರ ಮೂಲಕ ನೀಡಲಾಗುತ್ತಿದೆ. |
| ಇ) | ರಾಜ್ಯದಲ್ಲಿ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳ ಶೈಕ್ಷಣಿಕ ಚಟುವಟಿಕೆಗಳನ್ನು ನಿರ್ವಹಿಸಲು ಜಿಲ್ಲಾ ಮಟ್ಟದ ಶಿಕ್ಷಣ ಸಂಯೋಜಕರು, ಸಬ್ಜೆಕ್ಟ್ ಇನ್ಸ್‌ಪೆಕ್ಟರ್‌ಗಳನ್ನು ನೇಮಿಸುವ ಬಗ್ಗೆ ಸರ್ಕಾರಕ್ಕೆ ಇರುವ ತೊಂದರೆಯೇನು; | |
| ಈ) | ರಾಜ್ಯದಲ್ಲಿ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳ ಶೈಕ್ಷಣಿಕ ಚಟುವಟಿಕೆಗಳನ್ನು ಶಿಕ್ಷಣ ಸಂಯೋಜಕರು ಸಬ್ಜೆಕ್ಟ್ ಇನ್ಸ್‌ಪೆಕ್ಟರ್ ಮೂಲಕ ಪರಿಶೀಲಿಸಲು ಸಾರ್ವಜನಿಕ ಶಿಕ್ಷಣ ಇಲಾಖೆಯ ಸುಪರ್ದಿಗೆ ನೀಡಲು ಸರ್ಕಾರ ಉದ್ದೇಶವಿದೆಯೇ; ಅಥವಾ ಪ್ರತ್ಯೇಕ ವ್ಯವಸ್ಥೆ ಮಾಡುವ ಇಚ್ಛಾ ಶಕ್ತಿ ಇದೆಯೇ? (ಹಾಗಿದ್ದಲ್ಲಿ, ವಿವರ ನೀಡುವುದು) | ರಾಜ್ಯದಲ್ಲಿ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳ ಶೈಕ್ಷಣಿಕ ಚಟುವಟಿಕೆಗಳನ್ನು ನಿರ್ವಹಿಸಲು ಮೇಲ್ಕಂಡ ಎಲ್ಲಾ ಅವಶ್ಯ ಕ್ರಮ ಕೈಗೊಂಡಿರುವುದರಿಂದ ಜಿಲ್ಲಾ ಮಟ್ಟದ ಶಿಕ್ಷಣ ಸಂಯೋಜಕರು, ಸಬ್ಜೆಕ್ಟ್ ಇನ್ಸ್‌ಪೆಕ್ಟರ್‌ಗಳನ್ನು ನೇಮಿಸುವ ಅವಶ್ಯಕತೆ ಕಂಡುಬರುತ್ತಿಲ್ಲ. |

**ಸಂಖ್ಯೆ: ಸಕಇ 549 ಮೊದೇಶಾ 2021**

**(ಕೋಟ ಶ್ರೀನಿವಾಸ ಪೂಜಾರಿ)**
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು